ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಮಂಗಳವಾರ, ದಿನಾಂಕ : 23ನೇ ಜುಲೈ, 2019

ಕರ್ನಾಟಕ ರಾಜ್ಯ ಅಕ್ಕಮಹಾದೇವಿ ಮಹಿಳಾ ವಿಶ್ವವಿದ್ಯಾಲಯದಲ್ಲಿ ಮಂಜೂರಾದ ಮತ್ತು ಖಾಲಿಯಿರುವ ಹುದ್ದೆಗಳ ಕುರಿತು

ಶ್ರೀ ನಿರಾಣಿ ಹಣಮಂತ್ ರುದ್ರಪ್ಪ (ಪದವೀಧರರ ಕ್ಷೇತ್ರ):-

521 (485) ಮಾನ್ಯ ಉನ್ನತ ಶಿಕ್ಷಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ವಿಜಯಪುರದಲ್ಲಿರುವ ಕರ್ನಾಟಕ ರಾಜ್ಯ ಅಕ್ಕಮಹಾದೇವಿ ಮಹಿಳಾ ವಿಶ್ವವಿದ್ಯಾಲಯದಲ್ಲಿ ಮಂಜೂರಾದ ಒಟ್ಟು ಬೋಧಕ ಮತ್ತು ಬೋಧಕೇತರ ಹುದ್ದೆಗಳೆಷ್ಟು ; ಮತ್ತು ಖಾಲಿಯಿರುವ ಹುದ್ದೆಗಳೆಷ್ಟು; (ಹುದ್ದೆವಾರು ವಿವರ ನೀಡುವುದು)

(ಆ) ಅವುಗಳಲ್ಲಿ ಕಾರ್ಯನಿರ್ವಹಿಸುತ್ತಿರುವ ಖಾಯಂ, ಗುತ್ತಿಗೆ ಮತ್ತು ದಿನಗೂಲಿ ನೌಕರರ ಸಂಖ್ಯೆ ಎಷ್ಟು; (ಹುದ್ದೆವಾರು ಸಂಪೂರ್ಣ ವಿವರ ನೀಡುವುದು)

(ಇ) ಖಾಲಿಯಿರುವ ಹುದ್ದೆಗಳನ್ನು ಯಾವಕಾಲಮಿತಿಯಲ್ಲಿ ಭರ್ತಿ ಮಾಡಲಾಗುವುದು ;

(ಈ) ಸದರಿ ವಿಶ್ವವಿದ್ಯಾಲಯದ ಅಭಿವೃದ್ಧಿಗೆ ಪ್ರಸಕ್ತ ಸಾಲಿನಲ್ಲಿ ಹಮ್ಮಿಕೊಂಡಿರುವ ಕಾರ್ಯಗಳೇನು ;

(ಉ) ಸದರಿ ಯೋಜನೆಗಳಿಗೆ ಎಷ್ಟು ಅನುದಾನವನ್ನು ಮೀಸಲಿಡಲಾಗಿದೆ ;

(ಊ) ಸದರಿ ಅಭಿವೃದ್ಧಿ ಯೋಜನೆಗಳನ್ನು ಯಾವ ಕಾಲಮಿತಿಯಲ್ಲಿ ಪೂರ್ಣಗೊಳಿಸಲಾಗುವುದು ?